ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಬೀದರ್ ಬ್ರೀಮ್ಸ್ ಆಸ್ಪತ್ರೆ ಬಗ್ಗೆ

ಶ್ರೀ ರಘುನಾಥ್ ರಾವ್ ಮಲ್ಕಾಪೂರೆ(ವಿಧಾನಸಭೆಯಿಂದ ಚುನಾಯಿತರಾದವರು) –

ಶ್ರೀ ವಿಜಯ್ ಸಿಂಗ್(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) –

09 (104+71) ವೈದ್ಯಕೀಯ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಬೀದರ್ ಬ್ರೀಮ್ಸ್ ಮೆಡಿಕಲ್ ಕಾಲೇಜಿನಲ್ಲಿ ವ್ಯಾಸಂಗ ಮಾಡುತ್ತಿರುವ ವಿದ್ಯಾರ್ಥಿಗಳ ಸಂಖ್ಯೆ ಎಷ್ಟು; ಆಸ್ಪತ್ರೆಯಲ್ಲಿ ಪ್ರಸ್ತುತ ಇರುವ ಹಾಸಿಗೆಗಳ ಸಂಖ್ಯೆ ಎಷ್ಟು; (ಸಂಪೂರ್ಣ ಮಾಹಿತಿ ನೀಡುವುದು)

(ಆ) ಸದರಿ ಆಸ್ಪತ್ರೆಯಲ್ಲಿ ಖಾಲಿ ಇರುವ ವೈದ್ಯರ ಹುದ್ದೆಗಳ ಸಂಖ್ಯೆ ಎಷ್ಟು;

(ಇ) ಬೀದರ್ ಜಿಲ್ಲೆಯ ಬ್ರೀಮ್ಸ್ ಕಾಲೇಜು ಮತ್ತು ಆಸ್ಪತ್ರೆಗಳಿಗೆ ಮಂಜೂರಾಗಿರುವ ಹುದ್ದೆಗಳ ಸಂಖ್ಯೆ ಎಷ್ಟು;

(ಈ) ಎಷ್ಟು ನೌಕರರು ಖಾಯಂ ಆಗಿ ಮತ್ತು ಗುತ್ತಿಗೆ ಆಧಾರದ ಮೇಲೆ ಕಾರ್ಯನಿರ್ವಹಿಸುತ್ತಿದ್ದಾರೆ; ಇತ್ತೀಚೆಗೆ ನೇಮಕಗೊಂಡಿರುವ ಸಿಬ್ಬಂದಿಗಳ ಸಂಖ್ಯೆ ಎಷ್ಟು; (ಮಾಹಿತಿ ನೀಡುವುದು)

(ಉ) ಬೀದರ್‌ನಲ್ಲಿರುವ  ಬ್ರೀಮ್ಸ್ ಆಸ್ಪತ್ರೆಯ ಪ್ರಾಂಗಣದಲ್ಲಿ ಸ್ವಚ್ಛತೆ ಕಾಪಾಡಲು ಹಾಗೂ ಪ್ರಾಂಗಣದಲ್ಲಿ ದೀಪಗಳನ್ನು ಮತ್ತು ಇತರ ಮೂಲಭೂತ ವ್ಯವಸ್ಥೆಗಳನ್ನು ಅಳವಡಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು?